# ಕರ್ನಾಟಕ ಸರ್ಕಾರದ ನಡಾವಳಿಗಳು

**ವಿಷಯ:** 2023-24 ನೇ ಶೈಕ್ಷಣಿಕ ಸಾಲಿನಿಂದ ಎಸ್.ಎಸ್.ಎಲ್.ಸಿ. ಮತ್ತು ದ್ವಿತೀಯ ಪಿಯುಸಿ ಪರೀಕ್ಷೆಗಳನ್ನು ವಾರ್ಷಿಕ ಪರೀಕ್ಷೆ-1, 2 ಮತ್ತು 3 ಎಂದು ಹೆಸರಿಸಿ ಮೂರು ಅವಕಾಶಗಳನ್ನು ವಿದ್ಯಾರ್ಥಿಗಳಿಗೆ ಒದಗಿಸುವ ಬಗ್ಗೆ.

**ಓದಲಾಗಿದೆ** ಅಧ್ಯಕ್ಷರು, ಕರ್ನಾಟಕ ಶಾಲಾ ಪರೀಕ್ಷೆ ಮತ್ತು ಮೌಲ್ಯ ನಿರ್ಣಯ ಮಂಡಲಿ, ಬೆಂಗಳೂರು ಇವರ ಪ್ರಸ್ತಾವನೆಯ ಸಂಖ್ಯೆ: 17797. ಕೆ.ಎಸ್.ಇ.ಎ.ಬಿ/ಸಿ.ಹೆಚ್‌ಎಪಿ/ಎಡಿಎಂ(ಓಎಸ್‌ಟಿಆರ್)5/2023. ದಿನಾಂಕ: 12/09/2023

*****

**ಪ್ರಸ್ತಾವನೆ:**

ಮೇಲೆ ಓದಲಾದ ಪತ್ರದಲ್ಲಿ ಕರ್ನಾಟಕ ಶಾಲಾ ಪರೀಕ್ಷೆ ಮತ್ತು ಮೌಲ್ಯನಿರ್ಣಯ ಮಂಡಲಿ ಇವರ ಪ್ರಸ್ತಾವನೆಯಲ್ಲಿ 2023-24 ನೇ ಶೈಕ್ಷಣಿಕ ಸಾಲಿನಿಂದ ಎಸ್.ಎಸ್.ಎಲ್.ಸಿ ಮತ್ತು ದ್ವಿತೀಯ ಪಿಯುಸಿ ಪರೀಕ್ಷಾ ವ್ಯವಸ್ಥೆಯಲ್ಲಿ ಬದಲಾವಣೆಯನ್ನು ತರಲು ಪ್ರಸ್ತುತ ಪರೀಕ್ಷಾ ಪದ್ಧತಿಯಲ್ಲಿ ವಿದ್ಯಾರ್ಥಿಗಳಿಗೆ ಒಂದು ವಾರ್ಷಿಕ ಮತ್ತು ಒಂದು ಪೂರಕ ಪರೀಕ್ಷೆಯನ್ನು ನಡೆಸಲಾಗುತ್ತಿದೆ. ಈ ಪದ್ಧತಿಯ ಪರೀಕ್ಷೆಯು ವಿದ್ಯಾರ್ಥಿಗಳ ಮೇಲೆ ಹೆಚ್ಚು ಒತ್ತಡ ಮತ್ತು ಆತಂಕವನ್ನು ಸೃಷ್ಟಿಸುತ್ತಿದ್ದು, ಇದರಿಂದ ವಿದ್ಯಾರ್ಥಿಗಳ ಜ್ಞಾನಧಾರಣೆ, ಅರ್ಥಪೂರ್ಣ ಕಲಿಕೆ ಮತ್ತು ಶೈಕ್ಷಣಿಕ ಪ್ರಗತಿಯು ಕುಂಠಿತವಾಗುತ್ತಿರುವುದನ್ನು ಸರ್ಕಾರವು ಮನಗಂಡಿರುತ್ತದೆ. ಪ್ರಸ್ತುತ ದ್ವಿತೀಯ ಪಿಯುಸಿ ಪರೀಕ್ಷೆಯಲ್ಲಿ ಉತ್ತೀರ್ಣರಾದ ವಿದ್ಯಾರ್ಥಿಯು ಗಳಿಸಿದ ಅಂಕಗಳಿಂದ ತೃಪ್ತರಾಗದಿದ್ದಲ್ಲಿ, ವಾರ್ಷಿಕ ಪರೀಕ್ಷೆಯಲ್ಲಿ ಗಳಿಸಿದ ಅಂಕಗಳನ್ನು ತಿರಸ್ಕರಿಸಲು ಅವಕಾಶವಿದ್ದು, ಹಿಂದಿನ ಪರೀಕ್ಷೆಯಲ್ಲಿ ಪಡೆದ ಅಂಕಗಳನ್ನು ಪರಿಗಣಿಸದೇ ಪೂರಕ ಪರೀಕ್ಷೆಯಲ್ಲಿ ಗಳಿಸಿದ ಅಂಕಗಳನ್ನು ಮಾತ್ರ ವಿದ್ಯಾರ್ಥಿಯ ಅಂತಿಮ ಅಂಕಗಳೆಂದು ಪರಿಗಣಿಸಲಾಗುತ್ತಿದೆ. ಈ ವ್ಯವಸ್ಥೆಯು ವಿದ್ಯಾರ್ಥಿ ಸ್ನೇಹಿಯಾಗಿಲ್ಲದಿರುವುದನ್ನು ಗಮನಿಸಲಾಗಿದೆ. ಏಕೆಂದರೆ ಎರಡು ಪರೀಕ್ಷೆಗಳಲ್ಲಿ ತನ್ನ ಅತ್ಯುತ್ತಮ ಅಂಕವನ್ನು ಉಳಿಸಿಕೊಳ್ಳಲು ವಿದ್ಯಾರ್ಥಿಗೆ ಯಾವುದೇ ಆಯ್ಕೆ ಇರುವುದಿಲ್ಲ. ಪರೀಕ್ಷಾ ಪದ್ಧತಿಯಲ್ಲಿ ಸುಧಾರಣಾ ವ್ಯವಸ್ಥೆಯನ್ನು ಅಳವಡಿಸಿದಲ್ಲಿ 1, 2 ಮತ್ತು 3 ಪರೀಕ್ಷೆಗಳಲ್ಲಿ ಗಳಿಸಿದ ಅತ್ಯುತ್ತಮ ಅಂಕವನ್ನು ಉಳಿಸಿಕೊಳ್ಳಲು ವಿದ್ಯಾರ್ಥಿಗಳಿಗೆ ಅವಕಾಶ ಒದಗಿಸಿದಂತಾಗುತ್ತದೆ. ಇದರಿಂದಾಗಿ ವಿದ್ಯಾರ್ಥಿಗಳ ಮುಂದಿನ ವ್ಯಾಸಂಗ ಮತ್ತು ಉದ್ಯೋಗಕ್ಕೆ ಆಯ್ಕೆ ಪ್ರಕ್ರಿಯೆಯಲ್ಲಿ ಉತ್ತಮ ಅವಕಾಶ ಒದಗಿಸಿದಂತಾಗುತ್ತದೆ. ಅಲ್ಲದೆ, ವಿದ್ಯಾರ್ಥಿಗಳ ವೇಗ ಮತ್ತು ಶೈಲಿಯು ವಿಭಿನ್ನವಾಗಿದ್ದು 1, 2, ಮತ್ತು 3ನೇ ಪರೀಕ್ಷೆಗಳನ್ನು ನಡೆಸುವುದರಿಂದ ವಿದ್ಯಾರ್ಥಿಗಳು ಅವರ ಕಲಿಕೆಯ ವೇಗಕ್ಕೆ ಹೊಂದಿಕೊಳ್ಳಲು ಮತ್ತು ಸಮಯ ನಿರ್ಬಂಧಗಳಿಂದ ಉಂಟಾಗುವ ಒತ್ತಡವನ್ನು ಕಡಿಮೆ ಮಾಡಲು ಸಹಾಯ ಮಾಡುತ್ತದೆ.

"ಪೂರಕ ಪರೀಕ್ಷೆ" ಎಂಬ ಹೆಸರಿನ ಬದಲಿಗೆ ವಾರ್ಷಿಕ ಪರೀಕ್ಷೆ 1, 2 ಮತ್ತು 3 ಎಂದು ಹೆಸರಿಸಿ ಮೂರು ಅವಕಾಶಗಳನ್ನು ಒದಗಿಸುವ ಮೂಲಕ ವಿದ್ಯಾರ್ಥಿಯ ಒಟ್ಟಾರೆ ಕಾರ್ಯಕ್ಷಮತೆ ಮತ್ತು ಸಕಾರಾತ್ಮಕ ಮನೋಭಾವವನ್ನು ಉತ್ತೇಜಿಸುವುದು ಪರೀಕ್ಷಾ ಬದಲಾವಣೆಯ ಉದ್ದೇಶವಾಗಿರುತ್ತದೆ. ಈ ಮೂರು ಪರೀಕ್ಷೆಗಳಲ್ಲಿ ವಿಷಯ ಮತ್ತು ಕಠಿಣತೆಯ ಮಟ್ಟದಲ್ಲಿ ಏಕರೂಪತೆಯನ್ನು ಕಾಯ್ದುಕೊಂಡು ವಿದ್ಯಾರ್ಥಿಗಳು ಈ ಮೂರು ಪ್ರಯತ್ನಗಳಲ್ಲಿ ಗಳಿಸಿದ ಅಂಕಗಳಲ್ಲಿ ವಿಷಯವಾರು ಅತ್ಯುತ್ತಮವಾದುದನ್ನು ಆಯ್ಕೆ ಮಾಡಿಕೊಳ್ಳಲು ಅವಕಾಶ ನೀಡಲು ಉದ್ದೇಶಿಸಿರುವುದನ್ನು ಕರ್ನಾಟಕ ಶಾಲಾ ಪರೀಕ್ಷೆ ಮತ್ತು ಮೌಲ್ಯ ನಿರ್ಣಯ ಮಂಡಲಿಯು ಶಿಫಾರಸು ಮಾಡಿರುತ್ತದೆ ಮತ್ತು ಕೆಳಕಂಡ ಮಾರ್ಗಸೂಚಿಗಳನ್ವಯ ಪರೀಕ್ಷೆಗಳನ್ನು ನಡೆಸಲು ಉದ್ದೇಶಿಸಿರುತ್ತದೆ.

1. ಎಸ್.ಎಸ್.ಎಲ್.ಸಿ. ಮತ್ತು ದ್ವಿತೀಯ ಪಿಯುಸಿ ವಾರ್ಷಿಕ ಪರೀಕ್ಷೆ ತೆಗೆದುಕೊಳ್ಳುವ ವಿದ್ಯಾರ್ಥಿಗಳಿಗೆ ತರಗತಿಯಲ್ಲಿ ವಾರ್ಷಿಕ ಹಾಜರಾತಿ ಶೇಕಡ 75 ಕಡ್ಡಾಯವಾಗಿರಬೇಕು. ಶೇಕಡ 75ಕ್ಕಿಂತ ಕಡಿಮೆ ಹಾಜರಾತಿ ಹೊಂದಿದಲ್ಲಿ ಪರೀಕ್ಷೆ ಬರೆಯಲು ಅರ್ಹರಿರುವುದಿಲ್ಲ.

2. ಪ್ರಥಮ ಬಾರಿಗೆ ಪರೀಕ್ಷೆ ತೆಗೆದುಕೊಳ್ಳುವ ಹೊಸಬರು ಮತ್ತು ಖಾಸಗಿ ಅಭ್ಯರ್ಥಿಗಳು ಎಲ್ಲಾ ವಿಷಯಗಳಲ್ಲಿ ಪರೀಕ್ಷೆ-1 ಬರೆಯುವುದು ಕಡ್ಡಾಯ. ನೇರವಾಗಿ ಪರೀಕ್ಷೆ-2 ಮತ್ತು ಪರೀಕ್ಷೆ-3 ಕ್ಕೆ ಹಾಜರಾಗುವಂತಿಲ್ಲ.
3. ವಿದ್ಯಾರ್ಥಿಗಳಿಗೆ ಆಂತರಿಕ ಅಂಕಗಳನ್ನು ನೀಡುವ ಸಂಬಂಧ ಜಿಲ್ಲಾ ಉಪನಿರ್ದೇಶಕರು ಅಗತ್ಯ ತನಿಖಾ ತಂಡವನ್ನು ರಚಿಸಿ ಪ್ರತಿಯೊಂದು ಕಾಲೇಜಿಗೆ ಭೇಟಿ ನೀಡಿ, ಹಾಜರಾದವರ, ಗೈರು ಹಾಜರಾದವರ ಹಾಗೂ ನೊಂದಣಿಯಾದ ವಿದ್ಯಾರ್ಥಿಗಳ ಪರಿಶೀಲನೆ ನಡೆಸುವುದು.
4. ಎಸ್.ಎಸ್.ಎಲ್.ಸಿ ಮತ್ತು ದ್ವಿತೀಯ ಪಿಯುಸಿ ಪರೀಕ್ಷೆಗಳಲ್ಲಿ ತೇರ್ಗಡೆಯಾಗುವ ವಿದ್ಯಾರ್ಥಿಗಳಿಗೆ ಅಂಕಪಟ್ಟಿ ನೀಡುವ ಸಲುವಾಗಿ ಒಂದು ಬಾರಿ ಮಾತ್ರ ನಿಗದಿತ ಶುಲ್ಕವನ್ನು ವಿಧಿಸುವುದು. ಎರಡನೇ ಬಾರಿ ಶುಲ್ಕ ಪಡೆಯುವಂತಿಲ್ಲ.
5. ಪರೀಕ್ಷೆ-1 ರಲ್ಲಿ ತೇರ್ಗಡೆ ಹೊಂದಿದ ವಿದ್ಯಾರ್ಥಿಗಳಿಗೆ 2 ಮತ್ತು 3 ನೇ ಪರೀಕ್ಷೆ ತೆಗೆದುಕೊಳ್ಳಲು ಇಚ್ಛೆ ಇಲ್ಲದಿದ್ದಲ್ಲಿ ಅಂತಹ ಸಂದರ್ಭದಲ್ಲಿ ಅವರಿಗೆ ಅಂಕಪಟ್ಟಿಗಳನ್ನು ವಿತರಿಸಲು ಕ್ರಮ ವಹಿಸುವುದು.
6. ವಿದ್ಯಾರ್ಥಿಗಳ ಅಂಕಗಳನ್ನು ಪಡೆಯುವ ಸಲುವಾಗಿ National Academic Depository (NAD) ಡಿಜಿ ಲಾಕರ್ ವ್ಯವಸ್ಥೆಯಲ್ಲಿ ಆಯಾ ಪರೀಕ್ಷೆಗಳು ಮುಗಿದ ನಂತರ ಅಪ್‌ಲೋಡ್ ಮಾಡುವುದು.
7. ಎಸ್.ಎಸ್.ಎಲ್.ಸಿ. ಮತ್ತು ದ್ವಿತೀಯ ಪಿಯುಸಿ ಪರೀಕ್ಷೆಗಳಲ್ಲಿ ಅನುತ್ತೀರ್ಣರಾಗಿ ಮರು ಪ್ರಯತ್ನಿಸುವ ವಿದ್ಯಾರ್ಥಿಗಳಿಗೆ ಹಾಲಿ ವ್ಯವಸ್ಥೆಯನ್ನು ಮುಂದುವರೆಸುವುದು.

ಅದರಂತೆ ಪರಿಶೀಲಿಸಿ 2023-24 ನೇ ಸಾಲಿನಿಂದ ಜಾರಿಗೆ ಬರುವಂತೆ ಎಸ್.ಎಸ್‌ಎಲ್.ಸಿ. ಮತ್ತು ದ್ವಿತೀಯ ಪದವಿ ಪೂರ್ವ ಪರೀಕ್ಷೆಗಳನ್ನು ನಡೆಸಲು ಕೋರಿರುತ್ತಾರೆ. ಅದರಂತೆ ಪ್ರಸ್ತಾವನೆಯನ್ನು ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ.

**ಸರ್ಕಾರದ ಆದೇಶ ಸಂಖ್ಯೆ ಇಪಿ 203 ಎಸ್‌ಎಲ್‌ಬಿ 2023, ದಿನಾಂಕ:21.09-2023**

ಪ್ರಸ್ತಾವನೆಯಲ್ಲಿ ವಿವರಿಸಿರುವ ಹಿನ್ನಲೆಯಲ್ಲಿ 2023-24 ನೇ ಸಾಲಿನಿಂದ ಜಾರಿಗೆ ಬರುವಂತೆ ಕರ್ನಾಟಕ ಶಾಲಾ ಪರೀಕ್ಷೆ ಮತ್ತು ಮೌಲ್ಯ ನಿರ್ಣಯ ಮಂಡಲಿಯಿಂದ ಎಸ್.ಎಸ್‌ಎಲ್.ಸಿ. ಮತ್ತು ದ್ವಿತೀಯ ಪಿ.ಯು.ಸಿ ಪರೀಕ್ಷೆಗಳನ್ನು ಪರೀಕ್ಷೆ-1, ಪರೀಕ್ಷೆ-2 ಮತ್ತು ಪರೀಕ್ಷೆ-3 ಎಂದು ಹೆಸರಿಸಿ ವೇಳಾ ಪಟ್ಟಿಗನುಗುಣವಾಗಿ ನಿಗಧಿತ ಸಮಯದೊಳಗೆ ಈ ಕೆಳಕಂಡ ಮಾರ್ಗಸೂಚಿಗಳನ್ನು ಅನುಸರಿಸಿ/ಪಾಲಿಸಿ ಪರೀಕ್ಷೆ ನಡೆಸಲು ಸರ್ಕಾರವು ಆದೇಶಿಸಿದೆ.

1. ಎಸ್.ಎಸ್.ಎಲ್.ಸಿ. ಮತ್ತು ದ್ವಿತೀಯ ಪಿಯುಸಿ ವಾರ್ಷಿಕ ಪರೀಕ್ಷೆ ತೆಗೆದುಕೊಳ್ಳುವ ವಿದ್ಯಾರ್ಥಿಗಳಿಗೆ ತರಗತಿಯಲ್ಲಿ ವಾರ್ಷಿಕ ಹಾಜರಾತಿ ಶೇಕಡ 75 ಕಡ್ಡಾಯವಾಗಿರಬೇಕು. ಶೇಕಡ 75ಕ್ಕಿಂತ ಕಡಿಮೆ ಹಾಜರಾತಿ ಹೊಂದಿದಲ್ಲಿ ಪರೀಕ್ಷೆ ಬರೆಯಲು ಅರ್ಹರಿರುವುದಿಲ್ಲ.
2. ಪ್ರಥಮ ಬಾರಿಗೆ ಪರೀಕ್ಷೆ ತೆಗೆದುಕೊಳ್ಳುವ ಹೊಸಬರು ಮತ್ತು ಖಾಸಗಿ ಅಭ್ಯರ್ಥಿಗಳು ಎಲ್ಲಾ ವಿಷಯಗಳಲ್ಲಿ ಪರೀಕ್ಷೆ-1 ಬರೆಯುವುದು ಕಡ್ಡಾಯ. ನೇರವಾಗಿ ಪರೀಕ್ಷೆ-2 ಮತ್ತು ಪರೀಕ್ಷೆ-3 ಕ್ಕೆ ಹಾಜರಾಗುವಂತಿಲ್ಲ.
3. ವಿದ್ಯಾರ್ಥಿಗಳಿಗೆ ಆಂತರಿಕ ಅಂಕಗಳನ್ನು ನೀಡುವ ಸಂಬಂಧ ಜಿಲ್ಲಾ ಉಪನಿರ್ದೇಶಕರು ಅಗತ್ಯ ತನಿಖಾ ತಂಡವನ್ನು ರಚಿಸಿ ಪ್ರತಿಯೊಂದು ಕಾಲೇಜಿಗೆ ಭೇಟಿ ನೀಡಿ, ಹಾಜರಾದವರ, ಗೈರು ಹಾಜರಾದವರ ಹಾಗೂ ನೊಂದಣಿಯಾದ ವಿದ್ಯಾರ್ಥಿಗಳ ಪರಿಶೀಲನೆ ನಡೆಸುವುದು.
4. ಎಸ್.ಎಸ್.ಎಲ್.ಸಿ ಮತ್ತು ದ್ವಿತೀಯ ಪಿಯುಸಿ ಪರೀಕ್ಷೆಗಳಲ್ಲಿ ತೇರ್ಗಡೆಯಾಗುವ ವಿದ್ಯಾರ್ಥಿಗಳಿಗೆ ಅಂಕಪಟ್ಟಿ ನೀಡುವ ಸಲುವಾಗಿ ಒಂದು ಬಾರಿ ಮಾತ್ರ ನಿಗದಿತ ಶುಲ್ಕವನ್ನು ವಿಧಿಸುವುದು. ಎರಡನೇ ಬಾರಿ ಶುಲ್ಕ ಪಡೆಯುವಂತಿಲ್ಲ.
5. ಪರೀಕ್ಷೆ-1 ರಲ್ಲಿ ತೇರ್ಗಡೆ ಹೊಂದಿದ ವಿದ್ಯಾರ್ಥಿಗಳಿಗೆ 2 ಮತ್ತು 3 ನೇ ಪರೀಕ್ಷೆ ತೆಗೆದುಕೊಳ್ಳಲು ಇಚ್ಛೆ ಇಲ್ಲದಿದ್ದಲ್ಲಿ ಅಂತಹ ಸಂದರ್ಭದಲ್ಲಿ ಅವರಿಗೆ ಅಂಕಪಟ್ಟಿಗಳನ್ನು ವಿತರಿಸಲು ಕ್ರಮ ವಹಿಸುವುದು.

5. ಪರೀಕ್ಷೆ-1 ರಲ್ಲಿ ತೇರ್ಗಡೆ ಹೊಂದಿದ ವಿದ್ಯಾರ್ಥಿಗಳಿಗೆ 2 ಮತ್ತು 3 ನೇ ಪರೀಕ್ಷೆ ತೆಗೆದುಕೊಳ್ಳಲು ಇಚ್ಛೆ ಇಲ್ಲದಿದ್ದಲ್ಲಿ ಅಂತಹ ಸಂದರ್ಭದಲ್ಲಿ ಅವರಿಗೆ ಅಂಕಪಟ್ಟಿಗಳನ್ನು ವಿತರಿಸಲು ಕ್ರಮ ವಹಿಸುವುದು.

6. ವಿದ್ಯಾರ್ಥಿಗಳ ಅಂಕಗಳನ್ನು ಪಡೆಯುವ ಸಲುವಾಗಿ National Academic Depository (NAD) ಡಿಜಿ ಲಾಕರ್ ವ್ಯವಸ್ಥೆಯಲ್ಲಿ ಆಯಾ ಪರೀಕ್ಷೆಗಳು ಮುಗಿದ ನಂತರ ಅಪ್‌ಲೋಡ್ ಮಾಡುವುದು.

7. ಎಸ್.ಎಸ್.ಎಲ್.ಸಿ. ಮತ್ತು ದ್ವಿತೀಯ ಪಿಯುಸಿ ಪರೀಕ್ಷೆಗಳಲ್ಲಿ ಅನುತ್ತೀರ್ಣರಾಗಿ ಮರು ಪ್ರಯತ್ನಿಸುವ ವಿದ್ಯಾರ್ಥಿಗಳಿಗೆ ಹಾಲಿ ವ್ಯವಸ್ಥೆಯನ್ನು ಮುಂದುವರೆಸುವುದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ
ಮತ್ತು ಅವರ ಹೆಸರಿನಲ್ಲಿ,

21/9/22

**(ಎಸ್. ಪ್ರಕಾಶ)**
ಸರ್ಕಾರದ ಅಧೀನ ಕಾರ್ಯದರ್ಶಿ(ಪ್ರೌಢ)
ಶಾಲಾ ಶಿಕ್ಷಣ ಮತ್ತು ಸಾಕ್ಷರತಾ ಇಲಾಖೆ

**ಇವರಿಗೆ:-**

1. ಆಯುಕ್ತರು, ಶಾಲಾ ಶಿಕ್ಷಣ ಇಲಾಖೆ, ಬೆಂಗಳೂರು.
2. ಅಪರ ಆಯುಕ್ತರು, ಶಾಲಾ ಶಿಕ್ಷಣ ಇಲಾಖೆ, ಧಾರವಾಡ/ಕಲಬುರಗಿ.
3. ಅಧ್ಯಕ್ಷರು, ಕರ್ನಾಟಕ ಶಾಲಾ ಪರೀಕ್ಷೆ ಮತ್ತು ಮೌಲ್ಯ ನಿರ್ಣಯ ಮಂಡಲಿ, ಮಲ್ಲೇಶ್ವರಂ, ಬೆಂಗಳೂರು-
4. ನಿರ್ದೇಶಕರು, ಪದವಿ ಪೂರ್ವ ಶಿಕ್ಷಣ ಇಲಾಖೆ, ಮಲ್ಲೇಶ್ವರಂ, 18ನೇ ಕ್ರಾಸ್, ಬೆಂಗಳೂರು.
5. ನಿರ್ದೇಶಕರು (ಪ್ರೌಢ ಶಿಕ್ಷಣ), ಶಾಲಾ ಶಿಕ್ಷಣ ಇಲಾಖೆ, ಬೆಂಗಳೂರು.
6. ಎಲ್ಲಾ ಉಪ ನಿರ್ದೇಶಕರುಕರುಗಳಿಗೆ (ಆಯುಕ್ತರು, ಶಾಲಾ ಶಿಕ್ಷಣ ಇಲಾಖೆ, ಬೆಂಗಳೂರು ಇವರ ಮುಖಾಂತರ)
7. ಎಲ್ಲಾ ಜಿಲ್ಲಾ ಉಪನಿರ್ದೇಶಕರು, ಶಾಲಾ ಶಿಕ್ಷಣ ಇಲಾಖೆ, (ಪದವಿ ಪೂರ್ವ) ಇವರಿಗೆ
8. ಶಾಖಾ ರಕ್ಷಾ ಕಡತ /ಹೆಚ್ಚುವರಿ ಪ್ರತಿಗಳು.